ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ರಾಜ್ಯದ I.T.I. ಕಾಲೇಜುಗಳ ಶಿಕ್ಷಕರ ಕೊರತೆ ಕುರಿತು

ಶ್ರೀ ಹೆಚ್.ಎಂ.ರಮೇಶ ಗೌಡ (ವಿಧಾನಸಭೆಯಿಂದ ಚುನಾಯಿತರಾದವರು) :-

1464 (1734) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ ಹಾಗೂ ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ಐ.ಟಿ.ಐ. ಕಾಲೇಜುಗಳಲ್ಲಿ ಶಿಕ್ಷಕರ ಕೊರತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಹಾಗಿದ್ದಲ್ಲಿ, ಮಂಜೂರಾದ ಶಿಕ್ಷಕರ ಸಂಖ್ಯೆ, ಕಾರ್ಯ ನಿರ್ವಹಿಸುತ್ತಿರುವ ಶಿಕ್ಷಕರ ಸಂಖ್ಯೆ ಹಾಗೂ ಕೊರತೆಯಿರುವ ಶಿಕ್ಷಕರ ಸಂಖ್ಯೆ ಎಷ್ಟು ;

(ಇ) ರಾಜ್ಯದ ಎಷ್ಟು ಐ.ಟಿ.ಐ.ಕಾಲೇಜುಗಳಿಗೆ ಪ್ರಭಾರಿ ಪ್ರಾಂಶುಪಾಲರನ್ನು ನೇಮಿಸಲಾಗಿದೆ ; ಇದರಿಂದ ಆಡಳಿತಾತ್ಮಕ ತೊಂದರೆ ಆಗುವುದಿಲ್ಲವೇ ; ಇದನ್ನು ಸರಿಪಡಿಸಲು ಯಾವ ಕ್ರಮ ಕೈಗೊಳ್ಳಲಾಗಿದೆ ;

(ಈ) ಶಿಕ್ಷಕರ ನೇಮಕಾತಿಗಾಗಿ ಸರ್ಕಾರ ಯಾವ ಕ್ರಮ ಕೈಗೊಂಡಿದೆ?